ಲಿಖಿತ ಮೂಲಕ ಉತ್ತರಿಸುವ
ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತಮೂರನೆಯ ಅಧಿವೇಶನ
ಸೋಮವಾರ, ದಿನಾಂಕ : 01 ನೇ ಫೆಬ್ರುವರಿ, 2021

ರಾಜ್ಯದಲ್ಲಿ ಉನ್ನತ ಶಿಕ್ಷಣ ಕಾಲೇಜುಗಳು ಮರು ಆರಂಭ ಮಾಡುವ ಬಗ್ಗೆ

ಶ್ರೀ ಎನ್. ಅಪ್ಪಾಜಿಗೌಡ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

62 (70) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ರಾಜ್ಯದಲ್ಲಿ ಉನ್ನತ ಶಿಕ್ಷಣದ ಕಾಲೇಜುಗಳು ಮರು ಆರಂಭವಾದ ಹಿನ್ನಲೆಯಲ್ಲಿ ರಾಜ್ಯದ ಎಷ್ಟು ಕಾಲೇಜುಗಳು ಕಾರ್ಯಾರಂಭ ಮಾಡಿವೆ; ಎಷ್ಟು ವಿದ್ಯಾರ್ಥಿಗಳ ದಾಖಲಾತಿ ಆಗಿದೆ ; (ವಿವರ ನೀಡುವುದು)

(ಆ) ಸರ್ಕಾರದ ಆದೇಶಕ್ಕೂ ಮೊದಲೇ ರಾಜ್ಯದ ಹಲವು ಕಾಲೇಜುಗಳು ಕಾರ್ಯಾಚರಣೆ ಆರಂಭಿಸಿದ್ದು, ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಆ ಕಾಲೇಜುಗಳ ವಿರುದ್ಧ ಯಾವ ಕ್ರಮ ಕೈಗೊಳ್ಳಲಾಗಿದೆ ; (ವಿವರ ನೀಡುವುದು)

(ಇ) ತಾಲ್ಲೂಕು ಕೇಂದ್ರಗಳ ಕಾಲೇಜಿನಲ್ಲಿ ಸ್ಯಾನಿಟೈಸೇಷನ್, ಥರ್ಮಲ್ ಸ್ಕ್ರೀನಿಂಗ್, ರ್ಯಾಪಿಡ್ ಆಂಟಿಜನ್ ಮತ್ತು ಆರ್.ಟಿ.ಪಿ.ಸಿ.ಆರ್ ಪರೀಕ್ಷೆ ಸರಿಯಾದ ರೀತಿಯಲ್ಲಿ ನಡೆಸಲಾಗಿದೆಯೇ; ಈ ಸಂಬಂಧ ಆಗಿರುವ ವೆಚ್ಚದ ಮೊತ್ತವೆಷ್ಟು ? (ಸಂಪೂರ್ಣ ವಿವರ ನೀಡುವುದು)